# ಕರ್ನಾಟಕ ವಿಧಾನಸಭೆ

(15ನೇ ವಿಧಾನಸಭೆ)

ಹನ್ನೆರಡನೇ ಅಧಿವೇಶನ

## ಕಾರ್ಯಕಲಾಪಗಳ ಪಟ್ಟಿ

ಶುಕ್ರವಾರ, ದಿನಾಂಕ 18ನೇ ಫೆಬ್ರವರಿ, 2022

(ಸಮಯ: ಬೆಳಿಗ್ಗೆ 11.00 ಗಂಟೆಗೆ)

----

### 1. ಸಂತಾಪ ಸೂಚನೆ

### 2. ಪ್ರಶ್ನೋತ್ತರ

ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು : ನಾಲ್ಕನೇ ಪಟ್ಟಿ

ಆ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು : ನಾಲ್ಕನೇ ಪಟ್ಟಿ

### 3. ವರದಿಯನ್ನೊಪ್ಪಿಸುವುದು

1) **ಶ್ರೀ ಜಿ. ಸೋಮಶೇಖರ ರೆಡ್ಡಿ** (ಅಧ್ಯಕ್ಷರು, ಸ್ಥಳೀಯ ಸಂಸ್ಥೆಗಳ ಮತ್ತು ಪಂಚಾಯತ್ ರಾಜ್ ಸಂಸ್ಥೆಗಳ ಸಮಿತಿ) ಅವರು 2021-22ನೇ ಸಾಲಿನ ಕರ್ನಾಟಕ ವಿಧಾನ ಮಂಡಲದ ಸ್ಥಳೀಯ ಸಂಸ್ಥೆಗಳ ಮತ್ತು ಪಂಚಾಯತ್ ರಾಜ್ ಸಂಸ್ಥೆಗಳ ಸಮಿತಿಯ 35ನೇ ವರದಿಯನ್ನೊಪ್ಪಿಸುವುದು.

### 4. ಶಾಸನ ರಚನೆ

#### I. ವಿಧೇಯಕವನ್ನು ಮಂಡಿಸುವುದು

**ಶ್ರೀ ಬಸವರಾಜ ಬೊಮ್ಮಾಯಿ (ಮಾನ್ಯ ಮುಖ್ಯಮಂತ್ರಿಗಳು) ಅವರು:-**

ಅ) 2022ನೇ ಸಾಲಿನ ಕರ್ನಾಟಕ ಸಿವಿಲ್ ಸೇವೆಗಳ (2011ನೇ ಸಾಲಿನ ಗೆಜೆಟೆಡ್ ಪ್ರೊಬೇಷನರರ ಆಯ್ಕೆ ಮತ್ತು ನೇಮಕಾತಿಯ ಸಿಂಧುಗೊಳಿಸುವಿಕೆ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು;

ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

## II. ವಿಧೇಯಕವನ್ನು ಪರ್ಯಾಲೋಚಿಸುವುದು ಮತ್ತು ಅಂಗೀಕರಿಸುವುದು

**ಶ್ರೀ ಆರಗ ಜ್ಞಾನೇಂದ್ರ (ಮಾನ್ಯ ಗೃಹ ಸಚಿವರು) ಅವರು:-**

ಅ) 2022ನೇ ಸಾಲಿನ ಕ್ರಿಮಿನಲ್ ಕಾನೂನು ತಿದ್ದುಪಡಿ ಅಧ್ಯಾದೇಶ, 1944 (ಕರ್ನಾಟಕ ತಿದ್ದುಪಡಿ) ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

## 5. ರಾಜ್ಯಪಾಲರ ಭಾಷಣಕ್ಕೆ ಸಂಬಂಧಿಸಿದ ವಂದನಾರ್ಪಣಾ ಪ್ರಸ್ತಾವ

ದಿನಾಂಕ 15ನೇ ಫೆಬ್ರವರಿ, 2022ರಂದು ಶ್ರೀ ಪಿ. ರಾಜೀವ್ ರವರು ಸೂಚಿಸಿ, ಶ್ರೀ ಎಸ್. ಕುಮಾರ್ ಬಂಗಾರಪ್ಪ ರವರು ಅನುಮೋದಿಸಿದ ಕೆಳಕಂಡ ಪ್ರಸ್ತಾವದ ಮೇಲೆ ಮುಂದುವರೆದ ಚರ್ಚೆ (ಎರಡನೇ ದಿನ).

"ದಿನಾಂಕ 14ನೇ ಫೆಬ್ರವರಿ, 2022 ರಂದು ವಿಧಾನಮಂಡಲದ ಉಭಯ ಸದನಗಳ ಸದಸ್ಯರುಗಳನ್ನುದ್ದೇಶಿಸಿ ದಯಪಾಲಿಸಿದ ಭಾಷಣಕ್ಕಾಗಿ ಈ ಅಧಿವೇಶನದಲ್ಲಿ ಸೇರಿರುವ ವಿಧಾನಸಭೆಯ ಸದಸ್ಯರಾದ ನಾವು ಮಾನ್ಯ ರಾಜ್ಯಪಾಲರವರಿಗೆ ಕೃತಜ್ಞತಾಪೂರ್ವಕವಾದ ವಂದನೆಗಳನ್ನು ಸಮರ್ಪಿಸಲು ಅಪ್ಪಣೆ ಕೋರುತ್ತೇವೆ".

## 6. ನಿಯಮ 69ರ ಮೇರೆಗೆ ಸಾರ್ವಜನಿಕ ಮಹತ್ವದ ಜರೂರು ವಿಷಯಗಳ ಬಗ್ಗೆ ಅಲ್ಪ ಕಾಲಾವಧಿ ಚರ್ಚೆ

**ಶ್ರೀ ಎ.ಟಿ. ರಾಮಸ್ವಾಮಿ ಅವರು** – ಬೆಂಗಳೂರು ನಗರ ಜಿಲ್ಲೆ ಬೇಗೂರು ಹೋಬಳಿ ಹುಳಿಮಾವು ಗ್ರಾಮದಲ್ಲಿ ಸರ್ಕಾರಿ ಭೂಮಿಯ ಹಕ್ಕು ದಾಖಲೆಗಳನ್ನು ಅಕ್ರಮವಾಗಿ ಖಾಸಗಿ ವ್ಯಕ್ತಿಯ ಹೆಸರುಗಳಿಗೆ ದಾಖಲೆ ಮಾಡಿರುವ ಅಧಿಕಾರಿಗಳ ವಿರುದ್ಧ ಶಿಸ್ತು ಕ್ರಮ ಕೈಗೊಳ್ಳುವ ಬಗ್ಗೆ ಹಾಗೂ ಇದೇ ರೀತಿ ರಾಜ್ಯದಲ್ಲಿ ಹಲವಾರು ಪ್ರಕರಣಗಳಲ್ಲಿ ಸರ್ಕಾರದ ಆಸ್ತಿ ಲೂಟಿಯಾಗುತ್ತಿರುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

## 7. ಗಮನ ಸೆಳೆಯುವ ಸೂಚನೆಗಳು

1) **ಶ್ರೀ ರವಿಸುಬ್ರಮಣ್ಯ ಎಲ್.ಎ. ಅವರು** – ಶ್ರೀ ಗುರು ರಾಘವೇಂದ್ರ ಸಹಕಾರ ಬ್ಯಾಂಕ್‌ನಲ್ಲಿ ನಡೆದಿರುವ ಅವ್ಯವಹಾರಗಳ ತನಿಖೆಯ ಹಂತದ ಬಗ್ಗೆ ಹಾಗೂ ಶ್ರೀ ವಸಿಷ್ಠ ಕ್ರೆಡಿಟ್ ಸೌಹಾರ್ದ ಸಹಕಾರಿ ಸಂಸ್ಥೆಯಲ್ಲಿ ನಡೆದಿರುವ ಅವ್ಯವಹಾರಗಳ ಬಗ್ಗೆ ಮಾನ್ಯ ಸಹಕಾರ ಸಚಿವರ ಗಮನ ಸೆಳೆಯುವುದು.

2) **ಡಾ. ಯಂತ್ರೀಂದ್ರ ಸಿದ್ದರಾಮಯ್ಯ ಅವರು** – ರಾಜ್ಯದಲ್ಲಿ ಭಾಗ್ಯಜ್ಯೋತಿ/ ಕುಟೀರಜ್ಯೋತಿ ಯೋಜನೆಯಡಿಯಲ್ಲಿನ ಫಲಾನುಭವಿಗಳು 40 ಯೂನಿಟ್‌ಗಳಿಗಿಂತ ಹೆಚ್ಚಿಗೆ ವಿದ್ಯುತ್ ಬಳಕೆ ಮಾಡಿದಾಗ ಉಚಿತವಾಗಿ ನೀಡುವ 40 ಯೂನಿಟ್‌ಗೂ ಸೇರಿದಂತೆ ಪೂರ್ಣ ಬಳಕೆಗೆ ವಿದ್ಯುತ್ ಶುಲ್ಕ ವಿಧಿಸಲಾಗುತ್ತಿರುವುದರಿಂದ ಬಡವರಿಗೆ ತೊಂದರೆಯಾಗುತ್ತಿರುವ ಬಗ್ಗೆ ಮಾನ್ಯ ಇಂಧನ ಹಾಗೂ ಕನ್ನಡ ಮತ್ತು ಸಂಸ್ಕೃತಿ ಗಮನ ಸೆಳೆಯುವುದು.

3) **ಶ್ರೀ ಸಂಜೀವ ಮಠಂದೂರು ಅವರು** – ಪುತ್ತೂರು ನಗರ ಯೋಜನಾ ಪ್ರಾಧಿಕಾರದ ವ್ಯಾಪ್ತಿಯಲ್ಲಿ ನಿವೇಶನ ವಿನ್ಯಾಸ ನಕ್ಷೆ ಅನುಮೋದನೆಗೆ ಸಂಬಂಧಿಸಿದ ಕಾನೂನುಗಳಲ್ಲಿರುವ ಸಮಸ್ಯೆಗಳ ಬಗ್ಗೆ ಮಾನ್ಯ ನಗರಾಭಿವೃದ್ಧಿ ಸಚಿವರ ಗಮನ ಸೆಳೆಯುವುದು.

4) **ಶ್ರೀ ಡಿ.ಸಿ. ತಮ್ಮಣ್ಣ ಅವರು** – ವಿಶ್ವೇಶ್ವರಯ್ಯ ನಾಲೆಯ ಆಧುನೀಕರಣದ ಕಾಮಗಾರಿಯನ್ನು ಪ್ರಾರಂಭಿಸುವ ಬಗ್ಗೆ ಮಾನ್ಯ ಜಲಸಂಪನ್ಮೂಲ ಸಚಿವರ ಗಮನ ಸೆಳೆಯುವುದು.

5) **ಶ್ರೀ ಎಂ.ವಿ. ವೀರಭದ್ರಯ್ಯ ಅವರು** – ಮಧುಗಿರಿ–ಶಿರಾ ರಾಷ್ಟ್ರೀಯ ಹೆದ್ದಾರಿಯ 4 ಪಥಗಳ ರಸ್ತೆ ಕಾಮಗಾರಿಯ ಹಂತ ಹಾಗೂ ಕಾಮಗಾರಿಯನ್ನು ಅಭಿವೃದ್ಧಿ ಪಡಿಸಲು ನಿಗದಿಪಡಿಸಿರುವ ಕಾಲಮಿತಿಯ ಬಗ್ಗೆ ಮಾನ್ಯ ಲೋಕೋಪಯೋಗಿ ಸಚಿವರ ಗಮನ ಸೆಳೆಯುವುದು.

6) **ಶ್ರೀ ಕೆ.ಆರ್. ರಮೇಶ್ ಕುಮಾರ್ ಅವರು** – ಸೀನ್ ಆಫ್ ಕ್ರೈಂ ಆಫೀಸರ್ ಹುದ್ದೆಗೆ ನೇಮಕಾತಿ ಮಾಡಲು ಬಿ.ಎಸ್ಸಿ. ಪದವಿಯ ಜೊತೆಗೆ ನಿಗದಿಪಡಿಸಿರುವ Forensic Science (ನ್ಯಾಯ ವಿಜ್ಞಾನ) ನಲ್ಲಿ ಒಂದು ವರ್ಷದ ಡಿಪ್ಲೊಮಾ ಕೋರ್ಸ್ ರಾಜ್ಯದಲ್ಲಿ ಯಾವುದೇ ಕಾಲೇಜುಗಳಲ್ಲಿ ಇಲ್ಲದೇ ಇರುವುದರಿಂದ ಬಿ.ಎಸ್ಸಿ. ವಿದ್ಯಾರ್ಥಿಗಳಿಗೆ ತೊಂದರೆಯಾಗುತ್ತಿರುವ ಬಗ್ಗೆ ಮಾನ್ಯ ಗೃಹ ಸಚಿವರ ಗಮನ ಸೆಳೆಯುವುದು.

7) **ಶ್ರೀ ಎಂ. ಅಶ್ವಿನ್ ಕುಮಾರ್ ಅವರು** – ಮೈಸೂರು ಜಿಲ್ಲೆಯಲ್ಲಿ ರೈತರಿಗೆ ನೀಡುತ್ತಿರುವ 3 ಫೇಸ್ ವಿದ್ಯುತ್‌ನಲ್ಲಿ ವ್ಯತ್ಯಯವಾಗುತ್ತಿರುವುದರಿಂದ ರೈತರು ಹಾಗೂ ಸಾರ್ವಜನಿಕರಿಗೆ ಆಗುತ್ತಿರುವ ತೊಂದರೆಗಳ ಬಗ್ಗೆ ಮಾನ್ಯ ಇಂಧನ ಹಾಗೂ ಕನ್ನಡ ಮತ್ತು ಸಂಸ್ಕೃತಿ ಸಚಿವರ ಗಮನ ಸೆಳೆಯುವುದು.

8) **ಶ್ರೀ ಬಂಡೆಪ್ಪ ಖಾಶೆಂಪೂರ್ ಅವರು** – ಸರ್ಕಾರಿ ಪ್ರಾಥಮಿಕ ಮತ್ತು ಪ್ರೌಢಶಾಲೆಗಳಲ್ಲಿ 8ನೇ ತರಗತಿಯ ವಿದ್ಯಾರ್ಥಿಗಳಿಗೆ ಮಧ್ಯಾಹ್ನ ಬಿಸಿ ಊಟದ ಜೊತೆಗೆ ನೀಡಲಾಗುತ್ತಿರುವ ಮೊಟ್ಟೆ ಮತ್ತು ಬಾಳೆಹಣ್ಣನ್ನು 9ನೇ ಮತ್ತು 10ನೇ ತರಗತಿಯ ವಿದ್ಯಾರ್ಥಿಗಳಿಗೆ ನೀಡದೆ ತಾರತಮ್ಯ ಮಾಡುತ್ತಿರುವ ಬಗ್ಗೆ ಮಾನ್ಯ ಪ್ರಾಥಮಿಕ ಮತ್ತು ಪ್ರೌಢಶಿಕ್ಷಣ ಹಾಗೂ ಸಕಾಲ ಸಚಿವರ ಗಮನ ಸೆಳೆಯುವುದು.

9) **ಶ್ರೀ ಹೆಚ್. ನಾಗೇಶ್ ಅವರು** – ಮುಳಬಾಗಿಲು ಬೈಪಾಸ್‌ನಲ್ಲಿ ಲಭ್ಯವಿರುವ ಸ್ಥಳದಲ್ಲಿ ಹೈಟೆಕ್ ಬಸ್ ನಿಲ್ದಾಣ ನಿರ್ಮಾಣ ಮಾಡುವ ಬಗ್ಗೆ ಮಾನ್ಯ ಸಾರಿಗೆ ಹಾಗೂ ಪರಿಶಿಷ್ಟ ಪಂಗಡಗಳ ಕಲ್ಯಾಣ ಸಚಿವರ ಗಮನ ಸೆಳೆಯುವುದು.

..4/

10) **ಶ್ರೀ ಎಸ್.ಎನ್. ಸುಬ್ಬಾರೆಡ್ಡಿ ಅವರು** – ಚಿಕ್ಕಬಳ್ಳಾಪುರ ಜಿಲ್ಲೆಯ ಗುಡಿಬಂಡೆ ತಾಲ್ಲೂಕಿನ ಸಂಪೂರ್ಣ ಗ್ರಾಮಗಳನ್ನು ಗುಡಿಬಂಡೆ ಪೊಲೀಸ್ ಠಾಣಾ ವ್ಯಾಪ್ತಿಯಲ್ಲಿಯೇ ಈ ಹಿಂದೆ ಇದ್ದ ರೀತಿಯಲ್ಲಿ ಮುಂದುವರೆಸುವ ಬಗ್ಗೆ ಮಾನ್ಯ ಗೃಹ ಸಚಿವರ ಗಮನ ಸೆಳೆಯುವುದು.

11) **ಡಾ. ಕೆ. ಅನ್ನದಾನಿ ಅವರು** – ಕಾವೇರಿ ನದಿಯ ತಟಗಳಲ್ಲಿ ಹೇರಳವಾಗಿರುವ ಮರಳನ್ನು ಗಣಿಗಾರಿಕೆಯ ಮೂಲಕ ಸಾಗಾಣಿಕೆ ಮಾಡುವ ಬಗ್ಗೆ ಮಾನ್ಯ ಗಣಿ ಮತ್ತು ಭೂ ವಿಜ್ಞಾನ ಹಾಗೂ ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ, ವಿಕಲಚೇತನರ ಮತ್ತು ಹಿರಿಯ ನಾಗರೀಕರ ಸಬಲೀಕರಣ ಸಚಿವರ ಗಮನ ಸೆಳೆಯುವುದು.

12) **ಶ್ರೀ ಹೆಚ್.ಡಿ. ರೇವಣ್ಣ ಅವರು** – ಹಾಸನ ಜಿಲ್ಲೆ ಹೊಳೆನರಸೀಪುರ ತಾಲ್ಲೂಕಿನ ಹಳೇ ಕೋಟೆ ಹೋಬಳಿ ದೊಡ್ಡಕುಂಚೆ ಗ್ರಾಮದಲ್ಲಿ ಮೇಲ್ದರ್ಜೆಗೇರಿಸಲಾಗಿರುವ ಸಮುದಾಯ ಆರೋಗ್ಯ ಕೇಂದ್ರಕ್ಕೆ ಸ್ವಂತ ಕಟ್ಟಡ ನಿರ್ಮಿಸಲು ಅಂದಾಜು ಪಟ್ಟಿಗೆ ಅನುಮೋದನೆ ನೀಡುವ ಬಗ್ಗೆ ಹಾಗೂ ಖಾಲಿಯಿರುವ ವೈದ್ಯರು ಮತ್ತು ಅವಶ್ಯಕ ಸಿಬ್ಬಂದಿಗಳ ಹುದ್ದೆಗಳನ್ನು ಭರ್ತಿ ಮಾಡುವ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರ ಗಮನ ಸೆಳೆಯುವುದು.

**ಎಂ.ಕೆ.ವಿಶಾಲಾಕ್ಷಿ**
**ಕಾರ್ಯದರ್ಶಿ(ಪ್ರ)**

---

**ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ಅಂತರ್ಜಾಲದ ಈ ವಿಳಾಸದಲ್ಲಿ ಪಡೆದುಕೊಳ್ಳಬಹುದು**
***http://kla.kar.nic.in/assembly/lob/lob.htm***